ಸದನದಲ್ಲಿ ಉತ್ತರಿಸುವ ಪ್ರಶ್ನೆ



ಕರ್ನಾಟಕ ವಿಧಾನ ಪರಿಷತ್ತು
ನೂರ ನಲವತ್ತಮೂರನೆಯ ಅಧಿವೇಶನ
ಬುಧವಾರ, ದಿನಾಂಕ : 03 ನೇ ಫೆಬ್ರುವರಿ, 2021

ಬೆಳಗಾವಿ ಜಿಲ್ಲೆಯಲ್ಲಿನ ರಾಷ್ಟ್ರೀಯ ಹಾಗೂ ರಾಜ್ಯ ಹೆದ್ದಾರಿಗಳ ನಿರ್ವಹಣೆ ಮತ್ತು ನಿರ್ಮಾಣದ ಬಗ್ಗೆ

ಶ್ರೀ ಕವಟಗಿಮಠ ಮಹಾಂತೇಶ ಮಲ್ಲಿಕಾರ್ಜುನ (ಸ್ಥಳೀಯ ಸಂಸ್ಥೆಗಳ ಕ್ಷೇತ್ರ):-

261 (364) ಮಾನ್ಯ ಉಪ ಮುಖ್ಯಮಂತ್ರಿಗಳು ಹಾಗೂ ಲೋಕೋಪಯೋಗಿ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ:-

(ಅ) ಬೆಳಗಾವಿ ಜಿಲ್ಲೆಯ ರಾಷ್ಟ್ರೀಯ ಹಾಗೂ ರಾಜ್ಯ ಹೆದ್ದಾರಿಗಳು ಅತಿವೃಷ್ಟಿ, ಪ್ರವಾಹದಿಂದಾಗಿ ತೀರಾ ಹದಗೆಟ್ಟಿದ್ದು ಕನಿಷ್ಠ ನಿರ್ವಹಣೆಯಾಗುತ್ತಿರುವ ವಿಚಾರ ಸರ್ಕಾರದ ಗಮನಕ್ಕೆ ಬಂದಿದೆಯೇ ;

(ಆ) ಬಂದಿದ್ದಲ್ಲಿ, ರಸ್ತೆ ನಿರ್ಮಿಸಲು ಮತ್ತು ಸರಿಯಾದ ನಿರ್ವಹಣೆ ಮಾಡಲು ಸರ್ಕಾರ ತೆಗೆದುಕೊಂಡ ಕ್ರಮಗಳೇನು ;

(ಇ) 2017-18, 2018-19 ಹಾಗೂ 2019-20ನೇ ಸಾಲಿನಲ್ಲಿ ರಾಜ್ಯದಲ್ಲಿ ಒಟ್ಟು ಎಷ್ಟು ಹೆದ್ದಾರಿ ರಸ್ತೆಗಳನ್ನು ಮೇಲ್ದರ್ಜೆಗೇರಿಸಲಾಗಿದೆ ; ಈ ಯೋಜನೆಗೆ ಸರ್ಕಾರದಿಂದ ಮೀಸಲಿಟ್ಟಿದ್ದ ಅನುದಾನವೆಷ್ಟು ; ಬಳಕೆಯಾದ ಅನುದಾನವೆಷ್ಟು; (ವಿವರ ಒದಗಿಸುವುದು)

(ಈ) 2017-18, 2018-19 ಹಾಗೂ 2019-20ನೇ ಸಾಲಿನಲ್ಲಿ ನಬಾರ್ಡ್, 3054, ಸಿಆರ್‌ಎಫ್, ಎಸ್.ಸಿ.ಪಿ. /ಟಿ.ಎಸ್.ಪಿ, ಅಪೆಂಡಿಕ್ಸ್ ಯೋಜನೆಗಳಡಿ ಬೆಳಗಾವಿ ಜಿಲ್ಲೆಗೆ ಬಿಡುಗಡೆಯಾದ ಅನುದಾನ ಎಷ್ಟು ; (ತಾಲ್ಲೂಕುವಾರು ವಿವರ ಒದಗಿಸುವುದು)

(ಉ) ಇದರಲ್ಲಿ ಚಿಕ್ಕೋಡಿ-ಸದಲಗಾ ವಿಧಾನಸಭಾ ಕ್ಷೇತ್ರಕ್ಕೆ 2017-18, 2018-19 ಹಾಗೂ 2019-20ನೇ ಸಾಲಿನಲ್ಲಿ ಬಿಡುಗಡೆಯಾದ ಒಟ್ಟು ಅನುದಾನವೆಷ್ಟು ; ಸದರಿ ಕಾಮಗಾರಿಗಳು ಪೂರ್ಣಗೊಂಡಿವೆಯೇ ; ಇಲ್ಲದಿದ್ದಲ್ಲಿ, ಯಾವ ಹಂತದಲ್ಲಿದೆ? (ವಿವರ ಒದಗಿಸುವುದು)